ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 09ನೇ ಮಾರ್ಚ್, 2020

ವೇತನ ಬಟವಾಡೆ ಆಗದಿರುವ ಕುರಿತು

ಡಾ|| ವೈ.ಎ. ನಾರಾಯಣಸ್ವಾಮಿ (ಶಿಕ್ಷಕರ ಕ್ಷೇತ್ರ)

429 (564) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಮತ್ತು ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕಳೆದ ಒಂದು ವರ್ಷದಿಂದ ಪ್ರಾಥಮಿಕ ಶಾಲೆಯಿಂದ ಹಿಡಿದು ಪದವಿಪೂರ್ವ ಕಾಲೇಜಿನ ವರೆಗೆ ತಿಂಗಳಿಗೆ ಸರಿಯಾಗಿ ವೇತನ ಬಟವಾಡೆ ಆಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದರೆ, ಇದಕ್ಕೆ ಕಾರಣಗಳೇನು;

(ಆ) ಪ್ರತಿ ತಿಂಗಳು 5ನೇ ತಾರೀಖಿನ ಒಳಗೆ ವೇತನ ಬಟವಾಡೆ ಮಾಡಲು ಇರುವ ತೊಂದರೆ ಏನು;

(ಇ) ಈ ತೊಂದರೆ ನಿವಾರಣೆಗೆ ಶಾಶ್ವತ ಪರಿಹಾರವೇನು?